ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಉಚಿತ ಆರೋಗ್ಯ ಯೋಜನೆಗಳ ಬಗ್ಗೆ

ಶ್ರೀ ರಘುನಾಥ್‌ರಾವ್ ಮಲ್ಕಾಪೂರೆ(ವಿಧಾನಸಭೆಯಿಂದ ಚುನಾಯಿತರಾದವರು) –

87 (106) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಬೀದರ್ ಜಿಲ್ಲೆಯಲ್ಲಿ ಸಾರ್ವಜನಿಕರಿಗಾಗಿ ಜಾರಿಯಲ್ಲಿರುವ ಉಚಿತ ಆರೋಗ್ಯ ಯೋಜನೆಗಳಾವುವು;(ಸ್ಪಷ್ಟ ಮಾಹಿತಿ ಒದಗಿಸುವುದು)

(ಆ) ಕೇಂದ್ರ ಸರ್ಕಾರ ಜಾರಿಗೆ ತಂದಿರುವ ಉಚಿತ ಆರೋಗ್ಯ ಯೋಜನೆಗಳನ್ನು ಬೀದರ್ ಜಿಲ್ಲೆಯಲ್ಲಿ ಅಳವಡಿಸಿಕೊಳ್ಳಲಾಗಿದೆಯೇ; (ವಿವರ ನೀಡುವುದು)

(ಇ) ಸಾರ್ವಜನಿಕರಿಗಾಗಿ ಉಚಿತ ಆರೋಗ್ಯ ಯೋಜನೆಗಳನ್ನು ಯಾವ ಮಾನದಂಡವನ್ನು ಅನುಸರಿಸಿ ನೀಡಲಾಗುತ್ತಿದೆ; (ಮಾಹಿತಿ ನೀಡುವುದು)

(ಈ) ಉಚಿತ ಆರೋಗ್ಯ ಯೋಜನೆಯನ್ನು ಪಡೆದು ಆರೋಗ್ಯ ಕಾರ್ಡ್ ಪಡೆಯಲು ಸಾರ್ವಜನಿಕರಿಗೆ ತೊಂದರೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ಬಂದಿದ್ದಲ್ಲಿ ಈ ಸಮಸ್ಯೆಯನ್ನು ಸರಿಪಡಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು? (ಸಂಪೂರ್ಣ ಮಾಹಿತಿ ಒದಗಿಸುವುದು)